ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 13 ನೇ ಮಾರ್ಚ್, 2020

ರಾಜ್ಯದ ಅಂಗನವಾಡಿ ಕೇಂದ್ರಗಳ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

863 (1110) ಮಾನ್ಯ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ, ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ಒಟ್ಟು ಎಷ್ಟು ಅಂಗನವಾಡಿ ಕೇಂದ್ರಗಳಿವೆ; (ಜಿಲ್ಲಾವಾರು ಮಾಹಿತಿ ನೀಡುವುದು)

(ಆ) ಸದರಿ ಅಂಗನವಾಡಿ ಕೇಂದ್ರಗಳಲ್ಲಿ ಕಳೆದ ಮೂರು ವರ್ಷಗಳ ಅವಧಿಯಲ್ಲಿ ದಾಖಲಾದ ಮಕ್ಕಳ ಸಂಖ್ಯೆ ಎಷ್ಟು;

(ಇ) ಸದರಿ ಅಂಗನವಾಡಿ ಕೇಂದ್ರಗಳಲ್ಲಿ ಕಾರ್ಯನಿರ್ವಹಿಸುತ್ತಿರುವ ವಿವಿಧ ವೃಂದದ ಹುದ್ದೆಗಳ ಸಂಖ್ಯೆ ಎಷ್ಟು; (ಜಿಲ್ಲಾವಾರು ವಿವರ ನೀಡುವುದು)

(ಈ) ಸದರಿ ಅಂಗನವಾಡಿ ಕಾರ್ಯಕರ್ತರಿಗೆ ಪಾವತಿಸುವ ಗೌರವಧನವನ್ನು ಯಾವ ವರ್ಷದಲ್ಲಿ ನಿಗಧಿಪಡಿಸಲಾಗಿದೆ ಮತ್ತು ಯಾವ ಯಾವ ವರ್ಷಗಳಲ್ಲಿ ಮಾರ್ಪಡಿಸಲಾಗಿದೆ? (ವಿವರ ನೀಡುವುದು)